ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತೊಂದನೆಯ ಅಧಿವೇಶನ
ಸೋಮವಾರ, ದಿನಾಂಕ : 28 ನೇ ಸೆಪ್ಟೆಂಬರ್, 2020

ಅನುದಾನಿತ ಪ್ರೌಢ ಪ್ರಾಥಮಿಕ ಹಾಗೂ ಪದವಿ ಪೂರ್ವ ಕಾಲೇಜುಗಳಲ್ಲಿ ಖಾಲಿ ಹುದ್ದೆಗಳ ಭರ್ತಿ

ಶ್ರೀ ಅರುಣ ಶಹಾಪುರ (ಶಿಕ್ಷಕರ ಕ್ಷೇತ್ರ) -

89 (917) ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಮತ್ತು ಸಕಾಲ ಸಚಿವರು
ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಇಲಾಖೆಯ ಅನುದಾನಿತ ಪ್ರಾಥಮಿಕ ಪ್ರೌಢ ಶಾಲೆ ಹಾಗೂ ಪದವಿ ಪೂರ್ವ ಕಾಲೇಜುಗಳಲ್ಲಿ ಖಾಲಿ ಹುದ್ದೆ ಭರ್ತಿ ಮಾಡುವ ಬಗ್ಗೆ ಆರ್ಥಿಕ ಇಲಾಖೆಯು ಆರ್ಥಿಕ ಮಿತವ್ಯಯದ ಆದೇಶ ಹೊರಡಿಸಿ ಹುದ್ದೆ ಭರ್ತಿ ಮಾಡುವುದನ್ನು ತಡೆಹಿಡಿಯಲಾಗಿದೆಯೇ;

(ಆ) ಹಾಗಿದ್ದಲ್ಲಿ, ಪ್ರಸ್ತುತ ಎಷ್ಟು ಹುದ್ದೆಗಳನ್ನು ಭರ್ತಿ ಮಾಡಲು ಅನುಮತಿ ನೀಡಲಾಗಿತ್ತು; (ಪ್ರಾಥಮಿಕ, ಪ್ರೌಢ ಹಾಗೂ ಪದವಿ ಪೂರ್ವ ಕಾಲೇಜುಗಳ ಹುದ್ದೆವಾರು ವಿವರ ನೀಡುವುದು)

(ಇ) ಈಗಾಗಲೇ ಶಿಕ್ಷಣ ಸಂಸ್ಥೆಗಳು ಹುದ್ದೆಗಳನ್ನು ಇಲಾಖೆಯ ನಿಯಮಗಳಿಗನು ಗುಣವಾಗಿ ಅಧಿಸೂಚನೆ ಹೊರಡಿಸಿ, ನೇಮಕ ಮಾಡಿ ವೇತನ ಪಡೆಯುವ ಹಂತಕ್ಕೆ ಬಂದಿರುವ ಪ್ರಸ್ತಾವನೆಗಳ ಸಂಖ್ಯೆ ಎಷ್ಟು ಮತ್ತು ಅವು ಯಾವುವು; (ಶಿಕ್ಷಣ ಸಂಸ್ಥೆವಾರು, ಪ್ರಾಥಮಿಕ, ಪ್ರೌಢ ಹಾಗೂ ಪದವಿ ಪೂರ್ವ ಕಾಲೇಜುಗಳ ವಿವರ ನೀಡುವುದು)

(ಈ) ಈಗಾಗಲೇ ಹುದ್ದೆ ಭರ್ತಿ ಮಾಡಲು ಆರ್ಥಿಕ ಇಲಾಖೆಯ ಅನುಮತಿ ದೊರೆತಿರುವ ಹುದ್ದೆಗಳ ಸಂಖ್ಯೆ ಎಷ್ಟು; ಅವು ಯಾವುವು; (ಶಿಕ್ಷಣ ಸಂಸ್ಥೆವಾರು ವಿವರ ನೀಡುವುದು)

(ಉ) ಆರ್ಥಿಕ ಇಲಾಖೆಯು ಹೊರಡಿಸಿರುವ ಆರ್ಥಿಕ ಮಿತವ್ಯಯದ ಆದೇಶವನ್ನು ಹಿಂಪಡೆಯುವಂತೆ ಅಥವಾ ಸಡಿಲಗೊಳಿಸುವಂತೆ ಈಗಾಗಲೇ ಪ್ರಸ್ತಾವನೆಯನ್ನು ಶಿಕ್ಷಣ ಇಲಾಖೆಯು ಮಂಡಿಸಿದೆಯೇ; ಪ್ರಸ್ತಾವನೆಯು ಯಾವ ಹಂತದಲ್ಲಿದೆ; (ಶಿಫಾರಸ್ಸುಗಳ ಪ್ರತಿ ನೀಡುವುದು)

(ಊ) ಈ ಆದೇಶವನ್ನು ಸಡಿಲಗೊಳಿಸಿ ಖಾಲಿ ಹುದ್ದೆಗಳ ಭರ್ತಿಗೆ ಹಾಗೂ ವೇತನದ ಹಂತಕ್ಕೆ ಬಂದ ಪ್ರಸ್ತಾವನೆಗಳನ್ನು ಅನುಮೋದಿಸಿ ವೇತನ ಬಿಡುಗಡೆಗೊಳಿಸಲು ಸರ್ಕಾರ ಕ್ರಮ ಕೈಗೊಳ್ಳುವುದೇ?